# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 277

ಸದಸ್ಯರ ಹೆಸರು : ಶ್ರೀ ಎಸ್.ಎಲ್.ಭೋಜೇಗೌಡ (ಶಿಕ್ಷಕರ ಕ್ಷೇತ್ರ)

ಉತ್ತರಿಸುವ ದಿನಾಂಕ : 15-12-2021

ಉತ್ತರಿಸುವ ಸಚಿವರು : ಕಂದಾಯ ಸಚಿವರು

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಸರ್ಕಾರಿ ಉದ್ದೇಶಗಳಿಗೆ ಭೂಮಿ ಮಂಜೂರಾತಿ ನೀಡಲು ಯಾವ ಕಾಯ್ದೆಯಡಿಯಲ್ಲಿ ಅವಕಾಶ ಕಲ್ಪಿಸಲಾಗಿದೆ; (ಕಾಯ್ದೆಯ ಸಂಪೂರ್ಣ ವಿವರ ನೀಡುವುದು) | ಸರ್ಕಾರಿ ಉದ್ದೇಶಗಳಿಗಾಗಿ ಭೂಮಿಯನ್ನು ಕರ್ನಾಟಕ ಭೂ ಕಂದಾಯ ಕಾಯ್ದೆ, 1964ರ ಕಲಂ 71ರಡಿ ಕಾಯ್ದಿರಿಸಲಾಗುತ್ತಿದೆ ಮತ್ತು ಕರ್ನಾಟಕ ಭೂ ಮಂಜೂರಾತಿ ನಿಯಮಗಳು, 1969ರ ನಿಯಮ 22-ಎ(3) ರನ್ವಯ ಎಲ್ಲಾ ಸರ್ಕಾರಿ ಇಲಾಖೆಗಳಿಗೆ ಭೂಮಿಯನ್ನು ಉಚಿತವಾಗಿ ಮಂಜೂರು ಮಾಡಲಾಗುತ್ತಿದೆ. |
| ಆ) | ಕರ್ನಾಟಕ ಭೂ ಕಂದಾಯ ಅಧಿನಿಯಮದಡಿ ಕೆಲವು ತುರ್ತು ಸಂದರ್ಭಗಳಲ್ಲಿ ಸರ್ಕಾರಿ ಭೂಮಿಯನ್ನು ಮಂಜೂರಾತಿ ಮಾಡಲು ಜಿಲ್ಲಾಧಿಕಾರಿಯವರಿಗೆ ಅವಕಾಶ ಕಲ್ಪಿಸಲಾಗಿದೆಯೇ; ಹಾಗಿದ್ದಲ್ಲಿ, ಆದೇಶದ ಪ್ರತಿಯೊಂದಿಗೆ ವಿವರ ನೀಡುವುದು; | ಸರ್ಕಾರದ ಸುತ್ತೋಲೆ ಸಂಖ್ಯೆ: ಆರ್‌ಡಿ 70 ಎಲ್‌ಜಿಪಿ 2008; ದಿನಾಂಕ: 08.08.2008 ರಲ್ಲಿ ಸಾರ್ವಜನಿಕ ಉದ್ದೇಶಗಳಿಗಾಗಿ 4 ಹೆಕ್ಟೇರ್‌ವರೆಗೆ ಸರ್ಕಾರಿ ಭೂಮಿಯನ್ನು ಕಾಯ್ದಿರಿಸಲು ಜಿಲ್ಲಾಧಿಕಾರಿಗಳಿಗೆ ಅವಕಾಶ ಕಲ್ಪಿಸಲಾಗಿದೆ. (ಸುತ್ತೋಲೆ ಪ್ರತಿಯನ್ನು ಅನುಬಂಧದಲ್ಲಿ ನೀಡಲಾಗಿದೆ). |
| ಇ) | ಸರ್ಕಾರಿ ಶಾಲೆಗಳು, ಸರ್ಕಾರಿ ವಸತಿ ಶಾಲೆಗಳು ಹಾಗೂ ಇತರೆ ಸರ್ಕಾರಿ ಉದ್ದೇಶಗಳಿಗೆ ಭೂಮಿ ಮಂಜೂರಾತಿ ಮಾಡಲು ಇರುವಂತಹ ಮಾನದಂಡಗಳೇನು? (ವಿವರ ನೀಡುವುದು) | ಸರ್ಕಾರಿ ಶಾಲೆಗಳು, ಸರ್ಕಾರಿ ವಸತಿ ಶಾಲೆಗಳು ಹಾಗೂ ಇತರೆ ಸರ್ಕಾರಿ ಉದ್ದೇಶಗಳಿಗೆ ಭೂಮಿ ಮಂಜೂರಾತಿ ಮಾಡಲು ಪ್ರಸ್ತಾವನೆ ಸರ್ಕಾರಕ್ಕೆ ಸ್ವೀಕೃತವಾದಲ್ಲಿ ಪರಿಶೀಲಿಸಿ, ಕರ್ನಾಟಕ ಭೂ ಮಂಜೂರಾತಿ ನಿಯಮಗಳು, 1969ರ ನಿಯಮ 22-ಎ(3) ರನ್ವಯ ಎಲ್ಲಾ ಸರ್ಕಾರಿ ಇಲಾಖೆಗಳಿಗೆ ಭೂಮಿಯನ್ನು ಉಚಿತವಾಗಿ ಮಂಜೂರು ಮಾಡಲಾಗುತ್ತಿದೆ. |

ಸಂಖ್ಯೆ: ಆರ್‌ಡಿ 222 ಎಲ್‌ಜಿಕ್ಯೂ 2021 (ಇ)

(ಆರ್. ಅಶೋಕ)
ಕಂದಾಯ ಸಚಿವರು.

ಅನುಬಂಧ



**ಕರ್ನಾಟಕ ಸರ್ಕಾರ**

ಸಂಖ್ಯೆ: ಆರ್‌ಡಿ 70 ಎಲ್‌ಜಿಪಿ 2008

ಕರ್ನಾಟಕ ಸರ್ಕಾರದ ಸಚಿವಾಲಯ,
ಬಹುಮಹಡಿಗಳ ಕಟ್ಟಡ,
ಬೆಂಗಳೂರು, ದಿನಾಂಕ:08.08..008.

**ಸುತ್ತೋಲೆ**

ವಿಷಯ: ಭೂ ಮಂಜೂರಾತಿಗೆ ಸಂಬಂಧಿಸಿದಂತೆ ಕರ್ನಾಟಕ ಭೂ ಕಂದಾಯ ಕಾಯ್ದೆ ಮತ್ತು ಕರ್ನಾಟಕ ಭೂ ಮಂಜೂರಾತಿ ನಿಯಮಗಳಲ್ಲಿ ಜಿಲ್ಲಾಧಿಕಾರಿಗಳಿಗೆ ಕಲ್ಪಿಸಲಾಗಿರುವ ಅಧಿಕಾರವನ್ನು ಚಲಾಯಿಸುವ ಬಗ್ಗೆ.

*******

ಕರ್ನಾಟಕ ಭೂ ಕಂದಾಯ ಕಾಯ್ದೆಯ ಕಲಂ 71ರ ಅಡಿಯಲ್ಲಿ ಸಾರ್ವಜನಿಕ ವಿಶೇಷ ಉದ್ದೇಶಗಳಿಗಾಗಿ ಜಮೀನನ್ನು ಕಾಯ್ದಿರಿಸಲು ಆಯಾ ಜಿಲ್ಲಾಧಿಕಾರಿಗಳಿಗೆ ಅವಕಾಶ ಕಲ್ಪಿಸಲಾಗಿರುತ್ತದೆ. ಆದರೂ ಸಹ ಜಿಲ್ಲಾಧಿಕಾರಿಗಳು ಈ ಅಧಿಕಾರವನ್ನು ಚಲಾಯಿಸದೇ ಸ್ಮಶಾನ, ಆಶ್ರಯ ಯೋಜನೆ ಮುಂತಾದ ಸಾರ್ವಜನಿಕ ಉದ್ದೇಶಗಳಿಗಾಗಿ ಕಾಯ್ದಿರಿಸಲು ಸರ್ಕಾರದ ಅನುಮೋದನೆಗೆ ಸಲ್ಲಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ. ಅಲ್ಲದೆ ಶಾಲೆ, ಕಾಲೇಜು, ಆಸ್ಪತ್ರೆ, ಪಶುವೈದ್ಯ ಚಿಕಿತ್ಸಾಲಯ, ಸರ್ಕಾರಿ ಕಛೇರಿ ಕಟ್ಟಡ ಮುಂತಾದ ಉದ್ದೇಶಗಳಿಗಾಗಿ ಸರ್ಕಾರಿ ಇಲಾಖೆಗಳಿಗೆ ಜಮೀನು ಮಂಜೂರು ಮಾಡಲು ಸಹ ಜಿಲ್ಲಾಧಿಕಾರಿಗಳು ಸರ್ಕಾರಕ್ಕೆ ಪ್ರಸ್ತಾವನೆ ಸಲ್ಲಿಸುತ್ತಿದ್ದಾರೆ. ಇದರಿಂದ ಪ್ರಸ್ತಾವನೆಗಳನ್ನು ವಿಲೇವಾರಿ ಮಾಡಲು ಸಾಕಷ್ಟು ವಿಳಂಬವಾಗುತ್ತಿರುವುದು ಈ ಸರ್ಕಾರದ ಗಮನಕ್ಕೆ ಬಂದಿರುತ್ತದೆ.

ಆದ್ದರಿಂದ ಕರ್ನಾಟಕ ಭೂ ಕಂದಾಯ ಕಾಯ್ದೆ ಮತ್ತು ಕರ್ನಾಟಕ ಭೂ ಮಂಜೂರಾತಿ ನಿಯಮಗಳಲ್ಲಿ ಭೂ ಮಂಜೂರಾತಿ ಕುರಿತು / ಸಾರ್ವಜನಿಕ ಉದ್ದೇಶಗಳಿಗೆ ಕಾಯ್ದಿರಿಸುವ ಕುರಿತು ಜಿಲ್ಲಾಧಿಕಾರಿಗಳಿಗೆ ನೀಡಿರುವ ಅಧಿಕಾರವನ್ನು ಸಮರ್ಪಕವಾಗಿ ಚಲಾಯಿಸುವಂತೆ ಹಾಗೂ ಇಂತಹ ಪ್ರಸ್ತಾವನೆಗಳನ್ನು ಅನಗತ್ಯವಾಗಿ ಸರ್ಕಾರಕ್ಕೆ ಸಲ್ಲಿಸದಿರುವಂತೆ ಈ ಮೂಲಕ ಎಲ್ಲಾ ಜಿಲ್ಲಾಧಿಕಾರಿಗಳಿಗೆ ಸೂಚಿಸಲಾಗಿದೆ.

ಈ ಸುತ್ತೋಲೆಯು ಕನಿಷ್ಠ 4 ಹೆಕ್ಟೇರ್‌ವರೆಗೆ ಜಮೀನು ಮಂಜೂರು ಮಾಡಲು ಮಾತ್ರ ಅನ್ವಯವಾಗುತ್ತದೆ.

(ಡಿ. ತಂಗರಾಜ್)
ಸರ್ಕಾರದ ಪ್ರಧಾನ ಕಾರ್ಯದರ್ಶಿ,
ಕಂದಾಯ ಇಲಾಖೆ (ಭೂ.ಮಂ).

ಇವರಿಗೆ,

1) ಎಲ್ಲಾ ಪ್ರಾದೇಶಿಕ ಆಯುಕ್ತರು.
2) ಎಲ್ಲಾ ಜಿಲ್ಲಾಧಿಕಾರಿಗಳು.
3) ಎಲ್ಲಾ ಉಪವಿಭಾಗಾಧಿಕಾರಿಗಳು.
4) ಎಲ್ಲಾ ತಹಶೀಲ್ದಾರರು.
5) ಹೆಚ್ಚುವರಿ ಪ್ರತಿ.

} ಜಿಲ್ಲಾಧಿಕಾರಿಗಳ ಮುಖಾಂತರ.